# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 496
ಸದಸ್ಯರ ಹೆಸರು : ಶ್ರೀ ಕೆ.ಟಿ. ಶ್ರೀಕಂಠೇಗೌಡ (ಪದವೀಧರರ ಕ್ಷೇತ್ರ).
ಉತ್ತರಿಸುವ ದಿನಾಂಕ : 05-02-2021.
ಉತ್ತರಿಸುವವರು : ಮಾನ್ಯ ಗ್ರಾಮೀಣಾಭಿವೃದ್ಧಿ ಮತ್ತು ಪಂಚಾಯತ್ ರಾಜ್ ಸಚಿವರು.

| ಕ್ರ.ಸಂ | ಪ್ರಶ್ನೆ | ಉತ್ತರ |
|---|---|---|
| (ಅ) | ರಾಜ್ಯದಲ್ಲಿರುವ ಗ್ರಾಮ ಪಂಚಾಯತ್‌ಗಳ್ಲಲಿ ಮಂಜೂರಾದ ಹುದ್ದೆಗಳೆಷ್ಟು; (ವಿವರ ನೀಡುವುದು) | ರಾಜ್ಯದ ಗ್ರಾಮ ಪಂಚಾಯತಿಗಳಲ್ಲಿ ಮಂಜೂರಾದ ಪಂಚಾಯತಿ ಅಭಿವೃದ್ಧಿ ಅಧಿಕಾರಿ ಹುದ್ದೆಗಳ ಸಂಖ್ಯೆ:6021.<br><br>ಮಂಜೂರಾದ ಗ್ರಾಮ ಪಂಚಾಯತಿ ಕಾರ್ಯದರ್ಶಿ ಗ್ರೇಡ್-1 ಹುದ್ದೆಗಳ ಸಂಖ್ಯೆ:2194.<br><br>ಮಂಜೂರಾದ ಗ್ರಾಮ ಪಂಚಾಯತಿ ಕಾರ್ಯದರ್ಶಿ ಗ್ರೇಡ್-2 ಹುದ್ದೆಗಳ ಸಂಖ್ಯೆ:3827.<br><br>ಮಂಜೂರಾದ ದ್ವಿತೀಯ ದರ್ಜೆ ಲೆಕ್ಕ ಸಹಾಯಕ ಹುದ್ದೆಗಳ ಸಂಖ್ಯೆ:2579. |
| (ಆ) | ಇದರಲ್ಲಿ ಖಾಲಿ ಇರುವ ಹುದ್ದೆಗಳೆಷ್ಟು; ಯಾವಾಗ ಭರ್ತಿ ಮಾಡಲಾಗುವುದು; | ಖಾಲಿ ಇರುವ ಪಂಚಾಯತಿ ಅಭಿವೃದ್ಧಿ ಅಧಿಕಾರಿ ಹುದ್ದೆಗಳ ಸಂಖ್ಯೆ:746.<br><br>ಖಾಲಿ ಇರುವ ಗ್ರಾಮ ಪಂಚಾಯತಿ ಕಾರ್ಯದರ್ಶಿ ಗ್ರೇಡ್-1 ಹುದ್ದೆಗಳ ಸಂಖ್ಯೆ:300.<br><br>ಖಾಲಿ ಇರುವ ಗ್ರಾಮ ಪಂಚಾಯತಿ ಕಾರ್ಯದರ್ಶಿ ಗ್ರೇಡ್-2 ಹುದ್ದೆಗಳ ಸಂಖ್ಯೆ:749.<br><br>ಖಾಲಿ ಇರುವ ದ್ವಿತೀಯ ದರ್ಜೆ ಲೆಕ್ಕ ಸಹಾಯಕ ಹುದ್ದೆಗಳ ಸಂಖ್ಯೆ:505.<br><br>ಪಂಚಾಯತಿ ಅಭಿವೃದ್ಧಿ ಅಧಿಕಾರಿ ವೃಂದಕ್ಕೆ ಜಿಲ್ಲಾ ಪಂಚಾಯತಿಗಳ ಮುಖ್ಯ ಕಾರ್ಯನಿರ್ವಾಹಕ ಅಧಿಕಾರಿ ನೇಮಕಾತಿ ಪ್ರಾಧಿಕಾರ ಆಗಿದ್ದು ಗ್ರಾಮ ಪಂಚಾಯತಿ ಕಾರ್ಯದರ್ಶಿ ಗ್ರೇಡ್-1 ವೃಂದದ ಅರ್ಹ ನೌಕರರು ಲಭ್ಯವಾದಂತೆ ಜೇಷ್ಠತೆ ಮತ್ತು ಅರ್ಹತೆ ಆಧಾರದ ಮೇಲೆ ಮುಂಬಡ್ತಿ ಮೂಲಕ ಭರ್ತಿ ಮಾಡಲು ಮತ್ತು ಗ್ರಾಮ ಪಂಚಾಯಿತಿ ಕಾರ್ಯದರ್ಶಿ ಗ್ರೇಡ್-1 ಮತ್ತು ಗ್ರೇಡ್-2 ವೃಂದಕ್ಕೆ ಜಿಲ್ಲಾ ಪಂಚಾಯಿತಿಗಳ ಉಪ ಕಾರ್ಯದರ್ಶಿ (ಅಭಿವೃದ್ಧಿ) ರವರು ನೇಮಕಾತಿ ಪ್ರಾಧಿಕಾರ ಆಗಿದ್ದು ಗ್ರಾಮ ಪಂಚಾಯತಿ ಕಾರ್ಯದರ್ಶಿ ಗ್ರೇಡ್-2 ವೃಂದದ ಅರ್ಹ ನೌಕರರು ಲಭ್ಯವಾದಂತೆ ಜೇಷ್ಠತೆ ಮತ್ತು ಅರ್ಹತೆ ಆಧಾರದ ಮೇಲೆ ಮುಂಬಡ್ತಿ ಮೂಲಕ ಭರ್ತಿ ಮಾಡಲು ಸರ್ಕಾರದಿಂದ ಎಲ್ಲಾ ಜಿಲ್ಲಾ ಪಂಚಾಯತಿಗಳ ಮುಖ್ಯ ಕಾರ್ಯನಿರ್ವಾಹಕ ಅಧಿಕಾರಿಗಳಿಗೆ ನಿರ್ದೇಶನ ನೀಡಲಾಗಿದೆ.<br><br>ಗ್ರಾಮ ಪಂಚಾಯತಿ ಕಾರ್ಯದರ್ಶಿ ಗ್ರೇಡ್-2 ವೃಂದದ ಹೈದರಾಬಾದ್ ಕರ್ನಾಟಕ ಪ್ರದೇಶವನ್ನು ಹೊರತುಪಡಿಸಿದ 263 ಹುದ್ದೆಗಳು ಮತ್ತು ಹೈದರಾಬಾದ್ ಕರ್ನಾಟಕ ಪ್ರದೇಶದ 80 |

| | | |
|---|---|---|
| | | ಹುದ್ದೆಗಳು ಸೇರಿದಂತೆ ಒಟ್ಟು 343 ಹುದ್ದೆಗಳಿಗೆ ನೇರ ನೇಮಕಾತಿ ಮಾಡಲು ಮತ್ತು ದ್ವಿತೀಯ ದರ್ಜೆ ಲೆಕ್ಕ ಸಹಾಯಕ ವೃಂದದ ಹೈದರಾಬಾದ್ ಕರ್ನಾಟಕ ಪ್ರದೇಶವನ್ನು ಹೊರತುಪಡಿಸಿದ 55 ಹುದ್ದೆಗಳು ಮತ್ತು ಹೈದರಾಬಾದ್ ಕರ್ನಾಟಕ ಪ್ರದೇಶದ 103 ಹುದ್ದೆಗಳು ಸೇರಿದಂತೆ ಒಟ್ಟು 158 ಹುದ್ದೆಗಳಿಗೆ ನೇರ ನೇಮಕಾತಿ ಮಾಡಲು ಉದ್ದೇಶಿಸಲಾಗಿತ್ತು.<br><br>ಪ್ರಸ್ತುತ ಆರ್ಥಿಕ ಇಲಾಖೆಯು ಸುತ್ತೋಲೆ ಸಂಖ್ಯೆ:ಆಇ:03:ಬಿಇಎಂ:2020 ದಿನಾಂಕ:06-07-2020 ರಲ್ಲಿ ಕೋವಿಡ್-19 ನಿಂದಾಗಿ ಉಂಟಾಗಿರುವ ರಾಜ್ಯದ ಆರ್ಥಿಕ ಪರಿಸ್ಥಿತಿಯನ್ನು ಸುಧಾರಿಸುವ ನಿಟ್ಟಿನಲ್ಲಿ 2020-21 ನೇ ಸಾಲಿನಲ್ಲಿ ಯಾವುದೇ ನೇರ ನೇಮಕಾತಿ ಹುದ್ದೆಗಳನ್ನು ಭರ್ತಿ ಮಾಡುವುದನ್ನು ತಡೆಹಿಡಿಯುವಂತೆ ನಿರ್ದೇಶನ ನೀಡಿರುವುದರಿಂದ ಗ್ರಾಮ ಪಂಚಾಯತಿ ಕಾರ್ಯದರ್ಶಿ ಗ್ರೇಡ್-2 ಹುದ್ದೆಗೆ ನೇಮಕಾತಿ ಮಾಡುವುದನ್ನು ತಡೆಹಿಡಿಯಲಾಗಿದೆ.<br><br>ಮುಂದೆ ಆರ್ಥಿಕ ಇಲಾಖೆಯು ಹೊರಡಿಸುವ ಆದೇಶದಂತೆ ಗ್ರಾಮ ಪಂಚಾಯತಿ ಕಾರ್ಯದರ್ಶಿ ಗ್ರೇಡ್-2 ಮತ್ತು ದ್ವಿತೀಯ ದರ್ಜೆ ಲೆಕ್ಕ ಸಹಾಯಕ ವೃಂದದ ಹುದ್ದೆಗಳನ್ನು ವೃಂದ ಮತ್ತು ನೇಮಕಾತಿ ನಿಯಮಗಳ ಅನುಸಾರ ಗ್ರಾಮ ಪಂಚಾಯತಿ ನೌಕರರಿಂದ ಆಯ್ಕೆ ಮೂಲಕ ನೇರ ನೇಮಕಾತಿ ಮಾಡಲು ಎಲ್ಲಾ ಜಿಲ್ಲಾ ಪಂಚಾಯತಿ ಮುಖ್ಯ ಕಾರ್ಯನಿರ್ವಾಹಕ ಅಧಿಕಾರಿಗಳಿಗೆ ನಿರ್ದೇಶನ ನೀಡಲು ಕ್ರಮ ವಹಿಸಲಾಗುವುದು. |
| (ಇ) | ಪಿಡಿಓ ಹುದ್ದೆಗಳನ್ನು ಉನ್ನತೀಕರಿಸುವ ಪ್ರಸ್ತಾವನೆ ಸರ್ಕಾರದ ಮುಂದಿದೆಯೇ; | ಹೌದು. |
| (ಈ) | ಇದ್ದಲ್ಲಿ, ಈ ಬಗ್ಗೆ ಸರ್ಕಾರ ಕೈಗೊಂಡ ಕ್ರಮಗಳೇನು? | ಆರ್ಥಿಕ ಇಲಾಖೆಯ ಅಭಿಪ್ರಾಯದ ಮೇರೆಗೆ ಪಂಚಾಯತಿ ಅಭಿವೃದ್ಧಿ ಅಧಿಕಾರಿ ಹುದ್ದೆಯನ್ನು ಗ್ರೂಪ್ ಬಿ ಹುದ್ದೆಗೆ ಮೇಲ್ದರ್ಜೆಗೇರಿಸುವ ಪ್ರಸ್ತಾವನೆಯನ್ನು 6ನೇ ಕರ್ನಾಟಕ ರಾಜ್ಯ ವೇತನ ಆಯೋಗದ ಮುಂದೆ ಮಂಡಿಸಲಾಗಿತ್ತು. 6ನೇ ರಾಜ್ಯ ವೇತನ ಆಯೋಗವು ತನ್ನ ವರದಿಯ 2ನೇ ಸಂಪುಟವನ್ನು ಆರ್ಥಿಕ ಇಲಾಖೆಗೆ ಸಲ್ಲಿಸಿದ್ದು, ಗ್ರಾಮ ಪಂಚಾಯತಿಗಳ ಮೇಲ್ದರ್ಜೆಗೇರಿಸುವಿಕೆ ವಿಷಯವು ಸರ್ಕಾರದ ಹಂತದಲ್ಲಿ ಅದರ ಕಾರ್ಯನಿರ್ವಹಣೆಯ ಅಗತ್ಯತೆಗಳನ್ನು ಮತ್ತು ಇತರೆ ತತ್ಸಬಂಧ ಅಂಶಗಳನ್ನು ತೀರ್ಮಾನಿಸಬೇಕಾಗುತ್ತದೆ ಎಂದು ತಿಳಿಸಿರುತ್ತದೆ.<br><br>ರಾಜ್ಯದ ಗ್ರಾಮ ಪಂಚಾಯತ್‌ಗಳ ಪಂಚಾಯತ್ ಅಭಿವೃದ್ಧಿ ಅಧಿಕಾರಿ ಹುದ್ದೆಯನ್ನು ಗ್ರೂಪ್ ಬಿ ಹುದ್ದೆಯನ್ನಾಗಿ ಮೇಲ್ದರ್ಜೆಗೇರಿಸುವ ಬಗ್ಗೆ ಆರ್ಥಿಕ ಇಲಾಖೆಗೆ ಪ್ರಸ್ತಾವನೆ ಸಲ್ಲಿಸಲಾಗಿದೆ. |

ಸಂ. ಗ್ರಾಅಪ 60 ಗ್ರಾಪಂಅ 2021

(ಕೆ.ಎಸ್. ಈಶ್ವರಪ್ಪ)
ಗ್ರಾಮೀಣಾಭಿವೃದ್ಧಿ ಮತ್ತು ಪಂ.ರಾಜ್ ಸಚಿವರು.

ಕೆ.ಎಸ್. ಈಶ್ವರಪ್ಪ
ಗ್ರಾಮೀಣಾಭಿವೃದ್ಧಿ ಮತ್ತು
ಪಂಚಾಯತ್ ರಾಜ್ ಸಚಿವರು